ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

ಕೌಶಲ್ಯಾಭಿವೃದ್ಧಿ ಯೋಜನೆಯಡಿ ವಿವಿಧ ಯೋಜನೆಗಳು

ಶ್ರೀ ಕೆ.ಎ. ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು) :-

1479 (1751) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕೌಶಲ್ಯಾಭಿವೃದ್ಧಿಗೆ ಸಂಬಂಧಿಸಿದಂತೆ ಸರ್ಕಾರ ಹಮ್ಮಿಕೊಂಡಿರುವ ಯೋಜನೆಗಳು ಯಾವುವು; ಈ ಯೋಜನೆಗಳಿಂದ ಗ್ರಾಮೀಣ ಪ್ರದೇಶದ ವಿದ್ಯಾರ್ಥಿಗಳಿಗೆ ಆಗಿರುವ ಪ್ರಯೋಜನೆಗಳು ಯಾವುವು; (ಸಂಖ್ಯೆವಾರು, ಫಲಾನುಭವಿವಾರು ಮತ್ತು ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಕೌಶಲ್ಯ ಅಭಿವೃದ್ಧಿಪಡಿಸಲು ಸರ್ಕಾರ ಯಾವ ಯಾವ ಕ್ರಮಗಳನ್ನು ಕೈಗೊಂಡಿದೆ; ಈ ಸಂಬಂಧ ಎಷ್ಟು ತರಬೇತಿ ಕಾರ್ಯಾಗಾರಗಳನ್ನು ಸ್ಥಾಪಿಸಲಾಗಿದೆ; ಅವು ಯಾವುವು ಮತ್ತು ಅವು ಎಲ್ಲೆಲ್ಲಿವೆ;

(ಇ) ಇದುವರೆಗೆ ಸರ್ಕಾರ ಎಷ್ಟು ಉದ್ಯೋಗ ಮೇಳಗಳನ್ನು ಆಯೋಜಿಸಿದೆ; ಇಂತಹ ಮೇಳಗಳಿಂದ ಗ್ರಾಮೀಣ ಪ್ರದೇಶದ ಎಷ್ಟು ಅಭ್ಯರ್ಥಿಗಳಿಗೆ ಉದ್ಯೋಗ ಲಭಿಸಿದೆ; (ಜಿಲ್ಲಾವಾರು ಮಾಹಿತಿ ನೀಡುವುದು)

(ಈ) ಯುವ ಜನರಲ್ಲಿ ಕೌಶಲ್ಯವನ್ನು ಹೆಚ್ಚಿಸುವ ಸಲುವಾಗಿ ಆಧುನಿಕ ಹಾಗೂ ಜಾಗತಿಕ ವ್ಯವಹಾರಗಳಲ್ಲಿ ಯುವ ಪ್ರತಿಭೆಯನ್ನು ಆಕರ್ಷಿಸಲು ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು; (ವಿವರ ನೀಡುವುದು)

(ಉ) ಕಳೆದ ಮೂರು ವರ್ಷಗಳಲ್ಲಿ ಕೌಶಲ್ಯಾಭಿವೃದ್ಧಿಯಡಿ ವಿವಿಧ ಯೋಜನೆಗಳಿಗೆ ಮೀಸಲಿಟ್ಟ ಅನುದಾನ ಹಾಗೂ ಬಿಡುಗಡೆ ಮಾಡಲಾದ ಅನುದಾನವೆಷ್ಟು ? (ಪೂರ್ಣ ವಿವರ ನೀಡುವುದು)